

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ಗುರುತಿನ ಪ್ರಶ್ನೆ

ದಿನಾಂಕ : 31-03-2021 ಪ್ರಶ್ನೆ ಸಂಖ್ಯೆ : 348 (2472)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಸುನೀಲ್ ಗೌಡ ಬಸನಗೌಡ ಪಾಟೀಲ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 31-03-2021

ಉತ್ತರಿಸುವ ಸಚಿವರು : ಕಂದಾಯ ಸಚಿವರು

ವಿಷಯ : ಜಮಖಂಡಿ ತಾಲ್ಲೂಕಿನ ಸಾವಳಗಿ ಪಟ್ಟಣವನ್ನು ತಾಲ್ಲೂಕು ಕೇಂದ್ರವಾಗಿ ಘೋಷಿಸುವ ಕುರಿತು

(ಅ) ಬಾಗಲಕೋಟೆ ಜಿಲ್ಲೆಯ ಜಮಖಂಡಿ ತಾಲ್ಲೂಕಿನ ಸಾವಳಗಿ ಪಟ್ಟಣವನ್ನು ತಾಲ್ಲೂಕು ಕೇಂದ್ರವನ್ನಾಗಿ ಘೋಷಿಸಬೇಕೆಂಬ ಬೇಡಿಕೆಯು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಯಾವ ಕಾಲಮಿತಿಯೊಳಗೆ ಸಾವಳಗಿ ಪಟ್ಟಣವನ್ನು ತಾಲ್ಲೂಕು ಕೇಂದ್ರವನ್ನಾಗಿ ಘೋಷಿಸಲಾಗುವುದು; ಈ ಕುರಿತು ಸರ್ಕಾರದ ನಿಲುವೇನು;

(ಇ) ತಾಲ್ಲೂಕು ಪುನರ್ ರಚನಾ ಸಮಿತಿಗಳು ಶಿಫಾರಸ್ಸು ಮಾಡಿರುವಂತಹ ಪ್ರದೇಶಗಳು ಯಾವುವು; (ವಿವರ ನೀಡುವುದು)

(ಈ) ಇದರಲ್ಲಿ ಎಷ್ಟು ಪ್ರದೇಶಗಳನ್ನು ತಾಲ್ಲೂಕು ಕೇಂದ್ರವನ್ನಾಗಿ ಘೋಷಿಸಲಾಗಿದೆ ಮತ್ತು ಎಷ್ಟನ್ನು ಘೋಷಿಸಲು ಬಾಕಿ ಇವೆ?